## ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 753 |
| ಮಾನ್ಯ ಸದಸ್ಯರ ಹೆಸರು | ಶ್ರೀಮತಿ ಎಸ್.ವೀಣಾ ಅಚ್ಚಯ್ಯ<br>(ವಿಧಾನ ಸಭೆಯಿಂದ ಚುನಾಯಿತರಾದವರು) |
| ಉತ್ತರಿಸಬೇಕಾದ ದಿನಾಂಕ | 17.12.2018 |
| ಉತ್ತರಿಸುವ ಸಚಿವರು | ಮಾನ್ಯ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು |

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಕೊಡಗು ಜಿಲ್ಲೆಯಲ್ಲಿ ಸಂಭವಿಸಿದ ಪ್ರವಾಹ ಮತ್ತು ಭೂಕುಸಿತದ ಹಿನ್ನಲೆಯಲ್ಲಿ ಹಿಂದುಳಿದ ವರ್ಗಗಳ ಕಲ್ಯಾಣಕ್ಕಾಗಿ ಇಲಾಖೆಯಿಂದ ವಿಶೇಷ ಅನುದಾನ ಒದಗಿಸಿ ಅಭಿವೃದ್ಧಿ ಕಾಮಗಾರಿ ಗಳನ್ನು ಕೈಗೊಳ್ಳಲಾಗಿದೆಯೇ; | ಕೊಡಗು ಜಿಲ್ಲೆಯಲ್ಲಿ ಸಂಭವಿಸಿದ ಪ್ರಕೃತಿ ವಿಕೋಪದಿಂದಾಗಿ ವಿರಾಜಪೇಟೆ, ಮಡಿಕೇರಿ ಹಾಗೂ ಸೋಮವಾರಪೇಟೆ ತಾಲ್ಲೂಕಿನ ಹಿಂದುಳಿದ ವರ್ಗಗಳ ಕಲ್ಯಾಣ ಇಲಾಖೆಯ ವಿದ್ಯಾರ್ಥಿ ನಿಲಯಗಳ ಕಟ್ಟಡಗಳಿಗೆ ಹಾನಿ ಯಾಗಿದ್ದು ಸದರಿ ನಿಲಯಗಳ ಕಟ್ಟಡಗಳಿಗೆ ದುರಸ್ಥಿ ಕಾರ್ಯ ಕೈಗೊಳ್ಳಲು ಅಂದಾಜು ಪಟ್ಟಿಗಳನ್ನು ತಯಾರಿಸಿ ಸಲ್ಲಿಸಲು ಜಿಲ್ಲಾ ಹಿಂದುಳಿದ ವರ್ಗಗಳ ಕಲ್ಯಾಣಾಧಿಕಾರಿಗಳು, ಕೊಡಗು ಜಿಲ್ಲೆ, ಇವರಿಗೆ ಸೂಚಿಸಲಾಗಿದೆ. ಜಿಲ್ಲಾಧಿಕಾರಿಗಳಿಂದ ಅಂದಾಜು ಪಟ್ಟಿಗಳು ಬಂದ ನಂತರ ಅನುದಾನ ಬಿಡುಗಡೆ ಮಾಡುವ ಬಗ್ಗೆ ಕ್ರಮವಹಿಸಲಾಗುವುದು.<br><br>ಡಿ. ದೇವರಾಜ ಅರಸು ಹಿಂದುಳಿದ ವರ್ಗಗಳ ಅಭಿವೃದ್ಧಿ ನಿಗಮದ ವತಿಯಿಂದ ಕೊಡಗು ಜಿಲ್ಲೆಯಲ್ಲಿ ಪ್ರವಾಹ ಪೀಡಿತ ಸಂತ್ರಸ್ತರಾದ ಮಡಿವಾಳ, ಸವಿತಾ, ಕುಂಬಾರ ಮುಂತಾದ ಹಿಂದುಳಿದ ವರ್ಗಗಳಿಗೆ ಸೇರಿದ 2000 ಸಂತ್ರಸ್ತರಿಗೆ ವಿವಿಧ ಚಟುವಟಿಕೆಗಳನ್ನು ಕೈಗೊಳ್ಳಲು ರೂ.10.00 ಕೋಟಿಗಳ ವಿಶೇಷ ಪ್ಯಾಕೇಜ್ ಘೋಷಿಸಲಾಗಿದೆ. |
| ಆ) | ಪ್ರಸಕ್ತ ಆರ್ಥಿಕ ವರ್ಷದಲ್ಲಿ ಪ್ರಕೃತಿ ವಿಕೋಪದಿಂದ ಆಗಿರುವ ಹಾನಿಯನ್ನು ಸರಿಪಡಿಸಲು ಕೊಡಗು ಜಿಲ್ಲೆಗೆ ಎಷ್ಟು ಹೆಚ್ಚುವರಿ ಅನುದಾನ ನೀಡಲಾಗಿದೆ; | ಡಿ. ದೇವರಾಜ ಅರಸು ಹಿಂದುಳಿದ ವರ್ಗಗಳ ಅಭಿವೃದ್ಧಿ ನಿಗಮದ ವತಿಯಿಂದ ಕೊಡಗು ಜಿಲ್ಲೆಯಲ್ಲಿ ಪ್ರವಾಹ ಪೀಡಿತ ಸಂತ್ರಸ್ತರಾದ ಮಡಿವಾಳ, ಸವಿತಾ, ಕುಂಬಾರ ಮುಂತಾದ ಹಿಂದುಳಿದ ವರ್ಗಗಳಿಗೆ ಸೇರಿದ 2000 ಸಂತ್ರಸ್ತರಿಗೆ ಸ್ವಯಂ ಉದ್ಯೋಗ ಕೈಗೊಳ್ಳಲು ಅವರು ಕೈಗೊಳ್ಳುವ ಚಟುವಟಿಕೆಯನುಸಾರ ಗರಿಷ್ಠ ರೂ.50,000/- ಸಾಲ ಮತ್ತು ಈ |

| | | |
|---|---|---|
| | | ಮೊತ್ತದಲ್ಲಿ ಶೇ.30ರಷ್ಟು ಗರಿಷ್ಠ 10,000/-ಗಳ ಸಹಾಯಧನವನ್ನು ಮಂಜೂರು ಮಾಡಲು ಸರ್ಕಾರವು ರೂ.10.00ಕೋಟಿಗಳ ವಿಶೇಷ ಪ್ಯಾಕೇಜನ್ನು ಸರ್ಕಾರದ ಆದೇಶ ಸಂಖ್ಯೆ: ಬಿಸಿಡಬ್ಲ್ಯೂ 958 ಬಿಎಂಎಸ್ 2018, ದಿನಾಂಕ: 04-09-2018ರಲ್ಲಿ ಮಂಜೂರು ಮಾಡಿದೆ. ಈ ಕಾರ್ಯಕ್ರಮದಲ್ಲಿಫಲಾನುಭವಿಗಳನ್ನು ಮೀಸಲಾತಿ ಅನುಪಾತ ಅನ್ವಯ ಆಯ್ಕೆ ಮಾಡ ಬೇಕಾಗಿರುತ್ತದೆ. ಜಿಲ್ಲಾಧಿಕಾರಿಗಳು, ಕೊಡಗು ಜಿಲ್ಲೆ ಇವರ ಅಧ್ಯಕ್ಷತೆ ಯಲ್ಲಿ ಫಲಾನುಭವಿಗಳನ್ನು ಆಯ್ಕೆ ಮಾಡಲು ಆಯ್ಕೆ ಸಮಿತಿಯನ್ನು ರಚಿಸಲಾಗಿರುತ್ತದೆ. ಫಲಾನುಭವಿ ಗಳ ಆಯ್ಕೆ ಪ್ರಕ್ರಿಯೆ ಪ್ರಗತಿ ಯಲ್ಲಿರುತ್ತದೆ. |
| ಇ) | ಸದರಿ ಅನುದಾನದಿಂದ ಕೈಗೊಳ್ಳಲಿರುವ ಕಾಮಗಾರಿಗಳು ಯಾವುವು? | ಅನ್ವಯಿಸುವುದಿಲ್ಲ. |

**ಸಂ: ಹಿಂವಕ 1250 ಬಿಎಂಎಸ್ 2018**

**(ಸಿ.ಪುಟ್ಟರಂಗಶೆಟ್ಟಿ)**
**ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.**